# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| 1) | ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 2350 |
| 2) | ಮಾನ್ಯ ಸದಸ್ಯರ ಹೆಸರು | ಶ್ರೀ ಹೆಚ್.ಎಂ.ರಮೇಶಗೌಡ (ವಿಧಾನಸಭೆಯಿಂದ ಚುನಾಯಿತರಾದವರು) |
| 3) | ಉತ್ತರಿಸಬೇಕಾದ ದಿನಾಂಕ | 21/03/2022 |
| 4) | ಉತ್ತರಿಸುವವರು | ಮಾನ್ಯ ಉನ್ನತ ಶಿಕ್ಷಣ, ಐಟಿ–ಬಿಟಿ ವಿಜ್ಞಾನ ಮತ್ತು ತಂತ್ರಜ್ಞಾನ, ವಿದ್ಯುನ್ಮಾನ ಮತ್ತು ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಹಾಗೂ ಜೀವನೋಪಾಯ ಸಚಿವರು. |

*********

| ಕ್ರ ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ಅಲ್ಪ ಸಂಖ್ಯಾತರ ಶಿಕ್ಷಣ ಸಂಸ್ಥೆ ಸ್ಥಾನಮಾನ ಕೋರಿ ರಾಜ್ಯದ ಯಾವ ಯಾವ ಕೈಗಾರಿಕಾ ತರಬೇತಿ ಸಂಸ್ಥೆ (ಐ.ಟಿ.ಐ) ಗಳು ಸರ್ಕಾರಕ್ಕೆ ಪ್ರಸ್ತಾವನೆಗಳನ್ನು ಸಲ್ಲಿಸಿವೆ: ಈ ಪ್ರಸ್ತಾವನೆಗಳು ಯಾವ ಹಂತದಲ್ಲಿವೆ: (ವಿವರ ನೀಡುವುದು) | ಈ ಕೆಳಕಂಡ ಕೈಗಾರಿಕಾ ತರಬೇತಿ ಸಂಸ್ಥೆಗಳು ಅಲ್ಪಸಂಖ್ಯಾತ ಶಿಕ್ಷಣ ಸಂಸ್ಥೆಯ ಸ್ಥಾನಮಾನ ಕೋರಿ ಮನವಿ ಸಲ್ಲಿಸಿವೆ.<br>1) ಭರತೇಶ್ ಕೈಗಾರಿಕಾ ತರಬೇತಿ ಸಂಸ್ಥೆ, ಸಂಕೇಶ್ವರ ರಸ್ತೆ, ಹುಕ್ಕೇರಿ, ಬೆಳಗಾವಿ<br>2) ಆದರ್ಶ ಕೈಗಾರಿಕಾ ತರಬೇತಿ ಸಂಸ್ಥೆ, ಹಾವೇರಿ<br>3) ಗ್ಲೋಬಲ್ ಕೈಗಾರಿಕಾ ತರಬೇತಿ ಸಂಸ್ಥೆ, ಬಾಗಲಕೋಟೆ<br>4) ಎಂ.ಇ.ಎಸ್ ಕೈಗಾರಿಕಾ ತರಬೇತಿ ಸಂಸ್ಥೆ, ಮೈಸೂರು.<br>5) ಕ್ರೈಸ್ಟ್ ಅಕಾಡೆಮಿ ಇನ್‌ಸ್ಟಿಟ್ಯೂಟ್ ಆಫ್ ಅಡ್ವಾನ್ಸ್ ಸ್ಟಡೀಸ್ ಬೇಗೂರು.<br>6) ಜಮೆ ಉಲ್ ಉಲೂಮ್ ಕೈಗಾರಿಕಾ ತರಬೇತಿ ಸಂಸ್ಥೆ, ಬಿಡದಿ, ರಾಮನಗರ.<br>ಅಲ್ಪಸಂಖ್ಯಾತರ ಶಿಕ್ಷಣ ಸಂಸ್ಥೆಯ ಸ್ಥಾನಮಾನ ಕೋರಿ ರಾಜ್ಯ ಸರ್ಕಾರಕ್ಕೆ ಸಲ್ಲಿಸುವ ಪ್ರಸ್ತಾವನೆಗಳ ಮೇಲೆ ಹೇಗೆ ಕ್ರಮ ಕೈಗೊಳ್ಳಬೇಕು ಎಂಬುದರ ಬಗ್ಗೆ ಹೊಸದಾಗಿ ನಿಯಮಾವಳಿಗಳನ್ನು ರೂಪಿಸಲಾಗುತ್ತಿದೆ. ನಿಯಮಾವಳಿಗಳು ಅಂತಿಮಗೊಂಡ ನಂತರ, ಸದರಿ ನಿಯಮಗಳ ಪ್ರಕಾರ ಪ್ರಸ್ತಾವನೆಗಳನ್ನು ಪರಿಶೀಲಿಸಲಾಗುವುದು. |
| ಆ) | ರಾಜ್ಯದಲ್ಲಿರುವ ಕೆಲವು ಅನುದಾನಿತ ಕೈಗಾರಿಕಾ ತರಬೇತಿ ಸಂಸ್ಥೆ (ಐ.ಟಿ.ಐ) ಗಳಿಗೆ ಅಲ್ಪ ಸಂಖ್ಯಾತರ ಶಿಕ್ಷಣ ಸಂಸ್ಥೆ ಸ್ಥಾನಮಾನ ನೀಡುವ ಪ್ರಸ್ತಾವನೆಯು ಹಲವಾರು ತಿಂಗಳುಗಳಿಂದ ವಿಲೇವಾರಿಯಾಗದೇ ಸರ್ಕಾರದ ಹಂತದಲ್ಲಿಯೇ: ಬಾಕಿ ಉಳಿದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ: | ಹೌದು.<br>ಖಾಸಗಿ ಕೈಗಾರಿಕಾ ತರಬೇತಿ ಸಂಸ್ಥೆಗಳಿಗೆ ಅಲ್ಪಸಂಖ್ಯಾತರ ಶಿಕ್ಷಣ ಸಂಸ್ಥೆಯ ಸ್ಥಾನಮಾನ ನೀಡುವ ಕುರಿತು ಹೊಸದಾಗಿ ನಿಯಮಾವಳಿಗಳನ್ನು ರೂಪಿಸುತ್ತಿದ್ದು, ಸರ್ಕಾರದ ಹಂತದಲ್ಲಿ ವಿವಿಧ ಇಲಾಖೆಗಳ ಅಭಿಪ್ರಾಯಗಳನ್ನು ಕ್ರೋಢೀಕರಿಸಲಾಗುತ್ತಿದೆ. |
| ಇ) | ಬಂದಿದ್ದಲ್ಲಿ, ಈ ಸಂಸ್ಥೆಗಳಿಗೆ ಅಲ್ಪಸಂಖ್ಯಾತರ ಶಿಕ್ಷಣ ಸಂಸ್ಥೆ ಸ್ಥಾನಮಾನ ನೀಡಲು ಸರ್ಕಾರ ಕ್ರಮ ಕೈಗೊಂಡಿದೆಯೇ: (ಕಾಲೇಜುವಾರು ಮಾಹಿತಿ ನೀಡುವುದು) | ಅಲ್ಪಸಂಖ್ಯಾತರ ಶಿಕ್ಷಣ ಸಂಸ್ಥೆ ಸ್ಥಾನಮಾನ ನೀಡಲು ಸರ್ಕಾರವು ನಿಯಮಾವಳಿಗಳನ್ನು ರೂಪಿಸುತ್ತಿದ್ದು, ನಿಯಮಾವಳಿಗಳು ಅಂತಿಮಗೊಂಡ ನಂತರ ಅರ್ಹ ಸಂಸ್ಥೆಗಳಿಗೆ ಅಲ್ಪಸಂಖ್ಯಾತರ ಶಿಕ್ಷಣ ಸಂಸ್ಥೆ ಸ್ಥಾನಮಾನ ನೀಡಲು ನಿಯಮಾನುಸಾರ ಸೂಕ್ತ ಕ್ರಮ ವಹಿಸಲಾಗುವುದು. |

| | | |
|---|---|---|
| ಈ) | ಕೈಗೊಂಡಿದ್ದಲ್ಲಿ, ಆದೇಶಗಳ ಸಹಿತ ವಿವರ ನೀಡುವುದು: ಈ ಸಂಸ್ಥೆಗಳಿಗೆ ನಿಯಮಾನುಸಾರ ಯಾವ ಸೌಲಭ್ಯಗಳನ್ನು ಕಲ್ಪಿಸಲಾಗಿದೆ? (ವಿವರ ನೀಡುವುದು) | ನಿಯಮಾವಳಿಗಳು ಅಂತಿಮಗೊಂಡಿರುವುದಿಲ್ಲ. ಆದ್ದರಿಂದ ಯಾವುದೇ ಆದೇಶಗಳನ್ನು ಹೊರಡಿಸಿರುವುದಿಲ್ಲ. |

**ಸಂಖ್ಯೆ: ಕೌಉಜೀಇ 46 ಕೈತಪ್ರ 2022**

(ಡಾ.ಸಿ.ಎನ್.ಅಶ್ವತ್ಥ ನಾರಾಯಣ)
ಉನ್ನತ ಶಿಕ್ಷಣ, ಐಟಿ-ಬಿಟಿ, ವಿಜ್ಞಾನ ಮತ್ತು
ತಂತ್ರಜ್ಞಾನ, ವಿದ್ಯುನ್ಮಾನ ಮತ್ತು
ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು
ಜೀವನೋಪಾಯ ಸಚಿವರು